# ಕರ್ನಾಟಕ ವಿಧಾನಸಭೆ

(15ನೇ ವಿಧಾನಸಭೆ)

ಹದಿನೈದನೇ ಅಧಿವೇಶನ

## ಕಾರ್ಯಕಲಾಪಗಳ ಪಟ್ಟಿ

ಬುಧವಾರ, ದಿನಾಂಕ 15ನೇ ಫೆಬ್ರವರಿ, 2023

(ಸಮಯ: ಬೆಳಿಗ್ಗೆ 11.00 ಗಂಟೆಗೆ)

----

### 1. ಪ್ರಶ್ನೋತ್ತರ

ಅ) ಸದನದಲ್ಲಿ ಉತ್ತರಿಸುವ ಪ್ರಶ್ನೆಗಳು : ಮೂರನೇ ಪಟ್ಟಿ

ಆ) ಲಿಖಿತ ಮೂಲಕ ಉತ್ತರಿಸುವ ಪ್ರಶ್ನೆಗಳು : ಮೂರನೇ ಪಟ್ಟಿ

### 2. ರಾಜ್ಯಪಾಲರ ಭಾಷಣಕ್ಕೆ ಸಂಬಂಧಿಸಿದ ವಂದನಾರ್ಪಣಾ ಪ್ರಸ್ತಾವ

"ದಿನಾಂಕ 10ನೇ ಫೆಬ್ರವರಿ, 2023ರಂದು ಶ್ರೀ ಸಿ.ಟಿ. ರವಿ ರವರು ಸೂಚಿಸಿ, ಶ್ರೀ ಪಿ. ರಾಜೀವ್ ರವರು ಅನುಮೋದಿಸಿದ ಕೆಳಕಂಡ ಪ್ರಸ್ತಾವದ ಮೇಲೆ ಮುಂದುವರೆದ ಚರ್ಚೆ (ಮೂರನೇ ದಿನ).

"ದಿನಾಂಕ 10ನೇ ಫೆಬ್ರವರಿ, 2023 ರಂದು ವಿಧಾನಮಂಡಲದ ಉಭಯ ಸದನಗಳ ಸದಸ್ಯರುಗಳನ್ನುದ್ದೇಶಿಸಿ ದಯಪಾಲಿಸಿದ ಭಾಷಣಕ್ಕಾಗಿ ಈ ಅಧಿವೇಶನದಲ್ಲಿ ಸೇರಿರುವ ವಿಧಾನಸಭೆಯ ಸದಸ್ಯರಾದ ನಾವು ಮಾನ್ಯ ರಾಜ್ಯಪಾಲರವರಿಗೆ ಕೃತಜ್ಞತಾಪೂರ್ವಕವಾದ ವಂದನೆಗಳನ್ನು ಸಮರ್ಪಿಸಲು ಅಪ್ಪಣೆ ಕೋರುತ್ತೇವೆ".

## 3. ಶಾಸನ ರಚನೆ

**ವಿಧೇಯಕಗಳನ್ನು ಪರ್ಯಾಲೋಚಿಸುವುದು ಮತ್ತು ಅಂಗೀಕರಿಸುವುದು**

**1. ಡಾ. ಸಿ.ಎನ್. ಅಶ್ವಥ್ ನಾರಾಯಣ (ಮಾನ್ಯ ಉನ್ನತ ಶಿಕ್ಷಣ, ಮಾಹಿತಿ ತಂತ್ರಜ್ಞಾನ ಮತ್ತು ಜೈವಿಕ ತಂತ್ರಜ್ಞಾನ, ವಿಜ್ಞಾನ ಮತ್ತು ತಂತ್ರಜ್ಞಾನ ಹಾಗೂ ಕೌಶಲ್ಯಾಭಿವೃದ್ಧಿ ಸಚಿವರು) ಅವರು:-**

ಅ) 2022ನೇ ಸಾಲಿನ ಜಿ.ಎಂ. ವಿಶ್ವವಿದ್ಯಾಲಯ ವಿಧೇಯಕವನ್ನು ಪರ್ಯಾಲೋಚಿಸಬೇಕೆಂದು ಸೂಚಿಸುವುದು;

ಆ) ಹಾಗೂ ವಿಧೇಯಕವನ್ನು ಅಂಗೀಕರಿಸಬೇಕೆಂದು ಸೂಚಿಸುವುದು.

**2. ಡಾ. ಸಿ.ಎನ್. ಅಶ್ವಥ್ ನಾರಾಯಣ (ಮಾನ್ಯ ಉನ್ನತ ಶಿಕ್ಷಣ, ಮಾಹಿತಿ ತಂತ್ರಜ್ಞಾನ ಮತ್ತು ಜೈವಿಕ ತಂತ್ರಜ್ಞಾನ, ವಿಜ್ಞಾನ ಮತ್ತು ತಂತ್ರಜ್ಞಾನ ಹಾಗೂ ಕೌಶಲ್ಯಾಭಿವೃದ್ಧಿ ಸಚಿವರು) ಅವರು:-**

ಅ) 2022ನೇ ಸಾಲಿನ ಕಿಷ್ಕಿಂದ ವಿಶ್ವವಿದ್ಯಾಲಯ ವಿಧೇಯಕವನ್ನು ಪರ್ಯಾಲೋಚಿಸಬೇಕೆಂದು ಸೂಚಿಸುವುದು;

ಆ) ಹಾಗೂ ವಿಧೇಯಕವನ್ನು ಅಂಗೀಕರಿಸಬೇಕೆಂದು ಸೂಚಿಸುವುದು.

**3. ಡಾ. ಸಿ.ಎನ್. ಅಶ್ವಥ್ ನಾರಾಯಣ (ಮಾನ್ಯ ಉನ್ನತ ಶಿಕ್ಷಣ, ಮಾಹಿತಿ ತಂತ್ರಜ್ಞಾನ ಮತ್ತು ಜೈವಿಕ ತಂತ್ರಜ್ಞಾನ, ವಿಜ್ಞಾನ ಮತ್ತು ತಂತ್ರಜ್ಞಾನ ಹಾಗೂ ಕೌಶಲ್ಯಾಭಿವೃದ್ಧಿ ಸಚಿವರು) ಅವರು:-**

ಅ) 2022ನೇ ಸಾಲಿನ ಆಚಾರ್ಯ ವಿಶ್ವವಿದ್ಯಾಲಯ ವಿಧೇಯಕವನ್ನು ಪರ್ಯಾಲೋಚಿಸಬೇಕೆಂದು ಸೂಚಿಸುವುದು;

ಆ) ಹಾಗೂ ವಿಧೇಯಕವನ್ನು ಅಂಗೀಕರಿಸಬೇಕೆಂದು ಸೂಚಿಸುವುದು.

**4. ಡಾ. ಸಿ.ಎನ್. ಅಶ್ವಥ್ ನಾರಾಯಣ (ಮಾನ್ಯ ಉನ್ನತ ಶಿಕ್ಷಣ, ಮಾಹಿತಿ ತಂತ್ರಜ್ಞಾನ ಮತ್ತು ಜೈವಿಕ ತಂತ್ರಜ್ಞಾನ, ವಿಜ್ಞಾನ ಮತ್ತು ತಂತ್ರಜ್ಞಾನ ಹಾಗೂ ಕೌಶಲ್ಯಾಭಿವೃದ್ಧಿ ಸಚಿವರು) ಅವರು:-**

ಅ) 2022ನೇ ಸಾಲಿನ ಸಪ್ತಗಿರಿ ಎನ್ ಪಿ ಎಸ್ ವಿಶ್ವವಿದ್ಯಾಲಯ ವಿಧೇಯಕವನ್ನು ಪರ್ಯಾಲೋಚಿಸಬೇಕೆಂದು ಸೂಚಿಸುವುದು;

ಆ) ಹಾಗೂ ವಿಧೇಯಕವನ್ನು ಅಂಗೀಕರಿಸಬೇಕೆಂದು ಸೂಚಿಸುವುದು.

**5. ಡಾ. ಸಿ.ಎನ್. ಅಶ್ವಥ್ ನಾರಾಯಣ (ಮಾನ್ಯ ಉನ್ನತ ಶಿಕ್ಷಣ, ಮಾಹಿತಿ ತಂತ್ರಜ್ಞಾನ ಮತ್ತು ಜೈವಿಕ ತಂತ್ರಜ್ಞಾನ, ವಿಜ್ಞಾನ ಮತ್ತು ತಂತ್ರಜ್ಞಾನ ಹಾಗೂ ಕೌಶಲ್ಯಾಭಿವೃದ್ಧಿ ಸಚಿವರು) ಅವರು:-**

ಅ) 2022ನೇ ಸಾಲಿನ ರಾಜ್ಯ ಒಕ್ಕಲಿಗರ ಸಂಘ ವಿಶ್ವವಿದ್ಯಾಲಯ ವಿಧೇಯಕವನ್ನು ಪರ್ಯಾಲೋಚಿಸಬೇಕೆಂದು ಸೂಚಿಸುವುದು;

ಆ) ಹಾಗೂ ವಿಧೇಯಕವನ್ನು ಅಂಗೀಕರಿಸಬೇಕೆಂದು ಸೂಚಿಸುವುದು.

**6. ಡಾ. ಸಿ.ಎನ್. ಅಶ್ವಥ್ ನಾರಾಯಣ (ಮಾನ್ಯ ಉನ್ನತ ಶಿಕ್ಷಣ, ಮಾಹಿತಿ ತಂತ್ರಜ್ಞಾನ ಮತ್ತು ಜೈವಿಕ ತಂತ್ರಜ್ಞಾನ, ವಿಜ್ಞಾನ ಮತ್ತು ತಂತ್ರಜ್ಞಾನ ಹಾಗೂ ಕೌಶಲ್ಯಾಭಿವೃದ್ಧಿ ಸಚಿವರು) ಅವರು:-**

ಅ) 2022ನೇ ಸಾಲಿನ ಟಿ. ಜಾನ್ ವಿಶ್ವವಿದ್ಯಾಲಯ ವಿಧೇಯಕವನ್ನು ಪರ್ಯಾಲೋಚಿಸಬೇಕೆಂದು ಸೂಚಿಸುವುದು;

ಆ) ಹಾಗೂ ವಿಧೇಯಕವನ್ನು ಅಂಗೀಕರಿಸಬೇಕೆಂದು ಸೂಚಿಸುವುದು.

**7. ಶ್ರೀ ವಿ. ಸುನಿಲ್ ಕುಮಾರ್ (ಮಾನ್ಯ ಇಂಧನ ಹಾಗೂ ಕನ್ನಡ ಮತ್ತು ಸಂಸ್ಕೃತಿ ಸಚಿವರು) ಅವರು:-**

ಅ) 2022ನೇ ಸಾಲಿನ ಕನ್ನಡ ಭಾಷಾ ಸಮಗ್ರ ಅಭಿವೃದ್ಧಿ ವಿಧೇಯಕವನ್ನು ಪರ್ಯಾಲೋಚಿಸಬೇಕೆಂದು ಸೂಚಿಸುವುದು;

ಆ) ಹಾಗೂ ವಿಧೇಯಕವನ್ನು ಅಂಗೀಕರಿಸಬೇಕೆಂದು ಸೂಚಿಸುವುದು.

## 4. ಗಮನ ಸೆಳೆಯುವ ಸೂಚನೆಗಳು

1) **ಶ್ರೀ ಅಬ್ಬಯ್ಯ ಪ್ರಸಾದ್ ಅವರು** – ಧಾರವಾಡ ಜಿಲ್ಲೆಯ ಕಲಘಟಗಿ ತಾಲ್ಲೂಕು ಆಸ್ಪತ್ರೆಯಲ್ಲಿ ಶವ ಪರೀಕ್ಷೆ ಮಾಡಲು ಒಂದು ಸುಸಜ್ಜಿತವಾದ ಕೊಠಡಿ ಹಾಗೂ ಸ್ವಚ್ಛತೆ ಕೊರತೆಯ ಬಗ್ಗೆ ಮಾನ್ಯ ಆರೋಗ್ಯ ಮತ್ತು ಕುಟುಂಬ ಕಲ್ಯಾಣ ಹಾಗೂ ವೈದ್ಯಕೀಯ ಶಿಕ್ಷಣ ಸಚಿವರ ಗಮನ ಸೆಳೆಯುವುದು.

2) **ಶ್ರೀ ಬಸವರಾಜ ಮತ್ತಿಮೂಡ ಅವರು** – ಕಲಬುರಗಿ ಜಿಲ್ಲೆಯ ಕಮಲಾಪುರ ತಾಲ್ಲೂಕಿನಲ್ಲಿ ಪಟ್ಟವಾಡ ಹೊಸ ಗ್ರಾಮ ಪಂಚಾಯಿತಿಯನ್ನು ರಚಿಸುವ ಬಗ್ಗೆ ಮಾನ್ಯ ಮುಖ್ಯಮಂತ್ರಿಯವರ ಗಮನ ಸೆಳೆಯುವುದು.

3) **ಶ್ರೀ ಎಸ್. ಕುಮಾರ ಬಂಗಾರಪ್ಪ ಅವರು** – ಹಿಂದುಳಿದ ವರ್ಗಗಳ ಕಲ್ಯಾಣ ಇಲಾಖೆಯ ವಸತಿ ನಿಲಯಗಳ ಪುನರುಜ್ಜೀವನಕ್ಕೆ ಘೋಷಣೆ ಮಾಡಿರುವ ಅನುದಾನದ ಸದ್ಬಳಕೆ ಬಗ್ಗೆ ಮಾನ್ಯ ಸಮಾಜ ಕಲ್ಯಾಣ ಹಾಗೂ ಹಿಂದುಳಿದ ವರ್ಗಗಳ ಕಲ್ಯಾಣ ಸಚಿವರ ಗಮನ ಸೆಳೆಯುವುದು.

4) **ಶ್ರೀ ವೆಂಕಟರಾವ್ ನಾಡಗೌಡ ಅವರು** – ರಾಜ್ಯದಲ್ಲಿ ಎಂ.ಎಸ್.ಪಿ. ಯೋಜನೆಯಡಿಯಲ್ಲಿ ಕಡಲೆ ಖರೀದಿ ಕೇಂದ್ರವನ್ನು ಪ್ರಾರಂಭಿಸುವ ಬಗ್ಗೆ ಮಾನ್ಯ ಮುಖ್ಯಮಂತ್ರಿಯವರ ಗಮನ ಸೆಳೆಯುವುದು.

5) **ಶ್ರೀ ಕೆ.ಎಸ್. ಲಿಂಗೇಶ್ ಅವರು** – ಬೇಲೂರು ಮತಕ್ಷೇತ್ರದಲ್ಲಿ ಆನೆಗಳ ಹಾವಳಿಯಿಂದ ಉಂಟಾಗುವ ಪ್ರಾಣಹಾನಿ ಹಾಗೂ ಬೆಳೆಹಾನಿ ತಪ್ಪಿಸಲು ಶಾಶ್ವತ ಪರಿಹಾರ ನೀಡುವ ಬಗ್ಗೆ ಮಾನ್ಯ ಮುಖ್ಯಮಂತ್ರಿಯವರ ಗಮನ ಸೆಳೆಯುವುದು.

6) **ಶ್ರೀ ಹೆಚ್.ಡಿ. ರಂಗನಾಥ್ ಅವರು** – ಕುಣಿಗಲ್ ತಾಲ್ಲೂಕಿನಾದ್ಯಂತ ಅಸಮರ್ಪಕ ವಿದ್ಯುತ್ ಸರಬರಾಜಿನಿಂದ ರೈತರಿಗೆ ಹಾಗೂ ವಿದ್ಯಾರ್ಥಿಗಳಿಗೆ ತೊಂದರೆಯಾಗುತ್ತಿರುವ ಬಗ್ಗೆ ಮಾನ್ಯ ಇಂಧನ ಹಾಗೂ ಕನ್ನಡ ಮತ್ತು ಸಂಸ್ಕೃತಿ ಸಚಿವರ ಗಮನ ಸೆಳೆಯುವುದು.

7) **ಶ್ರೀ ಸಿ.ಎಸ್. ಪುಟ್ಟರಾಜು ಅವರು** – ರಾಜ್ಯದಲ್ಲಿನ ಗ್ರಂಥಾಲಯ ಮೇಲ್ವಿಚಾರಕರಿಗೆ ಹಾಗೂ ಉಚ್ಚ ನ್ಯಾಯಾಲಯದ ತೀರ್ಪಿನಂತೆ ಗ್ರಾಮ ಪಂಚಾಯತಿಯ ಗ್ರಂಥಾಲಯ ಮೇಲ್ವಿಚಾರಕರಿಗೆ ಕನಿಷ್ಠ ವೇತನ ನೀಡಲು ಕ್ರಮ ಕೈಗೊಳ್ಳುವ ಬಗ್ಗೆ ಮಾನ್ಯ ಮುಖ್ಯಮಂತ್ರಿಯವರ ಗಮನ ಸೆಳೆಯುವುದು.

8) **ಶ್ರೀ ಉಮಾನಾಥ್ ಕೋಟ್ಯಾನ್ ಅವರು** – ದಕ್ಷಿಣ ಕನ್ನಡ ಮತ್ತು ಉಡುಪಿ ಜಿಲ್ಲೆಗಳಲ್ಲಿ ಕಾನೂನು ಪ್ರಕಾರವಾಗಿ ವ್ಯವಸಾಯಕ್ಕೆ ಬಳಸಿಕೊಂಡ ರೈತಾಪಿ ವರ್ಗದವರಿಗೆ ಕುಮ್ಕಿ ಜಮೀನಿನ ಹಕ್ಕನ್ನು ಮಂಜೂರು ಮಾಡುವ ಬಗ್ಗೆ ಮಾನ್ಯ ಕಂದಾಯ ಸಚಿವರ ಗಮನ ಸೆಳೆಯುವುದು.

..4/

9) **ಶ್ರೀ ಟಿ. ರಘುಮೂರ್ತಿ ಅವರು** – ಚಳ್ಳಕೆರೆ ವಿಧಾನಸಭಾ ಕ್ಷೇತ್ರಕ್ಕೆ ಮಾನ್ಯ ಮುಖ್ಯಮಂತ್ರಿಗಳ ವಿಶೇಷ ಅನುದಾನ ಅಡಿಯಲ್ಲಿ ವಿವಿಧ ಇಲಾಖೆಗಳಿಗೆ ಮಂಜೂರಾಗಿರುವ ಹಣವನ್ನು ಆರ್ಥಿಕ ಇಲಾಖೆಯಿಂದ ಬಿಡುಗಡೆ ಮಾಡಲು ವಿಳಂಬವಾಗಿರುವ ಬಗ್ಗೆ ಮಾನ್ಯ ಮುಖ್ಯಮಂತ್ರಿಯವರ ಗಮನ ಸೆಳೆಯುವುದು.

10) **ಶ್ರೀ ಅಭಯ ಪಾಟೀಲ ಅವರು** – ಕೇಂದ್ರ ಸರಕಾರದ ವಶದಲ್ಲಿರುವ ಜಮೀನನ್ನು ಮರಳಿ ಪಡೆದು ಬೆಳಗಾವಿಯಲ್ಲಿ ಐಟಿ ಪಾರ್ಕ್ ಸ್ಥಾಪಿಸುವ ಬಗ್ಗೆ ಮಾನ್ಯ ಮುಖ್ಯಮಂತ್ರಿಯವರ ಗಮನ ಸೆಳೆಯುವುದು.

11) **ಶ್ರೀ ಡಿ.ಕೆ. ಶಿವಕುಮಾರ್ ಅವರು** – ಬೆಂಗಳೂರು ಅಭಿವೃದ್ಧಿ ಪ್ರಾಧಿಕಾರವು ಶಿವರಾಮ ಕಾರಂತ ಬಡಾವಣೆಯನ್ನು ನಿರ್ಮಿಸಲು ಸ್ವಾಧೀನಪಡಿಸಿಕೊಂಡ ಭೂಮಿ, ಬಡಾವಣೆ ನಿರ್ಮಿಸಿರುವ ವಿಸ್ತೀರ್ಣ, ಬಾಕಿ ಉಳಿದಿರುವ ವಿಸ್ತೀರ್ಣ, ಭೂ ಸ್ವಾಧೀನಪಡಿಸಿಕೊಂಡ ರೈತರಿಗೆ ಪ್ರತಿ ಎಕರೆಗೆ ನೀಡಿರುವ ಪರಿಹಾರ ಮೊತ್ತ, ಕಾಮಗಾರಿಯನ್ನು ನಿರ್ವಹಿಸಲು ಗುತ್ತಿಗೆಯನ್ನು ನೀಡಿರುವ ಕಂಪನಿ/ಏಜೆನ್ಸಿ, ಗುತ್ತಿಗೆಯನ್ನು ನೀಡುವಾಗ ಅನುಸರಿಸಿರುವ ಮಾನದಂಡ, ಬಡಾವಣೆಯ ನಿರ್ಮಾಣದ ಹಂತ ಇವುಗಳ ವಿವರ ಹಾಗೂ ಟೆಂಡರ್ ಪ್ರಕ್ರಿಯೆಯಲ್ಲಿ ನಡೆದಿರುವ ಅವ್ಯವಹಾರ ಕುರಿತು ಕ್ರಮ ಕೈಗೊಳ್ಳದಿರುವ ಬಗ್ಗೆ ಮಾನ್ಯ ಮುಖ್ಯಮಂತ್ರಿಯವರ ಗಮನ ಸೆಳೆಯುವುದು.

**ಎಂ.ಕೆ.ವಿಶಾಲಾಕ್ಷಿ**
**ಕಾರ್ಯದರ್ಶಿ**

---

**ವಿಧಾನಸಭೆಯ ಕಾರ್ಯಕಲಾಪಗಳ ಪಟ್ಟಿಯನ್ನು ಅಂತರ್ಜಾಲದ ಈ ವಿಳಾಸದಲ್ಲಿ ಪಡೆದುಕೊಳ್ಳಬಹುದು**
***http://kla.kar.nic.in/assembly/lob/lob.htm***